ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ : 07 ನೇ ಡಿಸೆಂಬರ್, 2020

ಸೂಪರ್ ಕಂಪ್ಯೂಟರಿಂಗ್ ಮಿಷನ್‌ನ ಉದ್ದೇಶಗಳು

ಶ್ರೀ ಕೆ. ಎ. ತಿಪ್ಪೇಸ್ವಾಮಿ(ನಾಮನಿರ್ದೇಶನ ಹೊಂದಿದವರು) –

78 (75) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಕೇಂದ್ರ ಸರ್ಕಾರ ಸೂಪರ್ ಕಂಪ್ಯೂಟರ್‌ಗಳನ್ನು ಅಭಿವೃದ್ಧಿಪಡಿಸುವ ನಿಟ್ಟಿನಲ್ಲಿ ಕೈಗೊಂಡಿರುವ ಯೋಜನೆಗಳ ಅಡಿ ರಾಜ್ಯ ಸರ್ಕಾರ ಇದುವರೆಗೆ ಕೇಂದ್ರದಿಂದ ಪಡೆದಿರುವ ಅನುದಾನವೆಷ್ಟು; (ಸಂಪೂರ್ಣ ಮಾಹಿತಿ ನೀಡುವುದು)

(ಆ) ಸೂಪರ್ ಕಂಪ್ಯೂಟರ್‌ಗಳಿಗಾಗಿ ಅಪ್ಲಿಕೇಷನ್‌ಗಳನ್ನು ಅಭಿವೃದ್ಧಿಪಡಿಸುವ ಕಾರ್ಯವನ್ನು ಕೇಂದ್ರ ಮತ್ತು ರಾಜ್ಯ ಸರ್ಕಾರಗಳು ರಾಜ್ಯದಲ್ಲಿನ ಸರ್ಕಾರೇತರ ಸಂಸ್ಥೆಗಳಿಗೆ ವಹಿಸಲಾಗಿದೆಯೇ; (ಮಾಹಿತಿ ನೀಡುವುದು)

(ಇ) ಈ ಅಪ್ಲಿಕೇಷನ್‌ಗಳನ್ನು ಪರಿಣಾಮಕಾರಿಯಾಗಿ ನಿರ್ವಹಿಸಲು ಹೆಚ್ಚಿನ ಕಾರ್ಯಕ್ಷಮತೆ ಕಂಪ್ಯೂಟರಿಂಗ್ ಮತ್ತು ನುರಿತ ಮಾನವ ಸಂಪನ್ಮೂಲವನ್ನು ಅಭಿವೃದ್ಧಿಪಡಿಸಲು ಸರ್ಕಾರ ತೆಗೆದುಕೊಂಡಿರುವ ಕ್ರಮಗಳೇನು? (ವಿವರ ಒದಗಿಸುವುದು)